# ಕರ್ನಾಟಕ ವಿಧಾನ ಪರಿಷತ್ತು

| | | |
|---|---|---|
| ಚುಕ್ಕೆಗುರುತಿನ ಪ್ರಶ್ನೆ ಸಂಖ್ಯೆ | : | **316 (2352)** |
| ಸದಸ್ಯರ ಹೆಸರು | : | ಡಾ॥ ವೈ.ಎ ನಾರಾಯಣಸ್ವಾಮಿ (ಶಿಕ್ಷಕರ ಕ್ಷೇತ್ರ) |
| ಉತ್ತರಿಸಬೇಕಾದ ದಿನಾಂಕ | : | 29.03.2021 |
| ಉತ್ತರಿಸುವ ಸಚಿವರು | : | ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು |

| ಕ್ರ ಸಂ. | ಪ್ರಶ್ನೆ | ಉತ್ತರ |
|---|---|---|
| ಅ | ದೈಹಿಕ ಶಿಕ್ಷಣ ಶಿಕ್ಷಕರನ್ನು ಸಹ ಶಿಕ್ಷಕರನ್ನಾಗಿ ಪರಿಗಣಿಸುವ ಪ್ರಕ್ರಿಯೆ ಯಾವ ಹಂತದಲ್ಲಿದೆ; (ಮಾಹಿತಿ ನೀಡುವುದು) | ಸರ್ಕಾರದ ಆದೇಶ ಸಂಖ್ಯೆ :ಇಡಿ 290 ಎಸ್‌ಎಲ್‌ಬಿ 2006, ದಿ:06/08/2007ರಲ್ಲಿ ಪ್ರೋ:ವೈದ್ಯನಾಥನ್ ವರದಿಗೆ ಅನುಮೋದನೆ ನೀಡಿದ್ದು, ಸದರಿ ವರದಿಯಲ್ಲಿನ 14 ಅಂಶಗಳ ಪೈಕಿ 13 ಅಂಶಗಳನ್ನು ಜಾರಿಗೊಳಿಸಲಾಗಿದ್ದು, ಉಳಿದ 14ನೇ ಅಂಶವಾದ ದೈಹಿಕ ಶಿಕ್ಷಣ ಶಿಕ್ಷಕರುಗಳ ಪದನಾಮವನ್ನು "ಸಹ ಶಿಕ್ಷಕರು" (ದೈಹಿಕ ಶಿಕ್ಷಣ) ಎಂದು ಪರಿಗಣಿಸಲು ಹಾಗೂ ಸಾರ್ವಜನಿಕ ಶಿಕ್ಷಣ ಇಲಾಖೆಯ ವೃಂದ ಮತ್ತು ನೇಮಕಾತಿ ನಿಯಮಗಳನ್ನು ಸಮಗ್ರವಾಗಿ ಪರಿಷ್ಕರಣೆ ಮಾಡುವ ಬಗ್ಗೆ ಪ್ರಸ್ತಾವನೆ ಇದ್ದು, ಈ ಬಗ್ಗೆ ಸರ್ಕಾರದ ಪ್ರಧಾನ ಕಾರ್ಯದರ್ಶಿ, ಪ್ರಾಥಮಿಕ ಹಾಗೂ ಪ್ರೌಢ ಶಿಕ್ಷಣ ಇಲಾಖೆ ಇವರ ಅಧ್ಯಕ್ಷತೆಯಲ್ಲಿ ದಿನಾಂಕ:24/05/2018ರಂದು ಹಾಗೂ ಸರ್ಕಾರದ ಅಪರ ಮುಖ್ಯ ಕಾರ್ಯದರ್ಶಿ, ಕರ್ನಾಟಕ ಸರ್ಕಾರ ಇವರ ಅಧ್ಯಕ್ಷತೆಯಲ್ಲಿ ದಿನಾಂಕ:23/10/2018ರಂದು ನಡೆದ ವೃಂದ ಪರಿಶೀಲನಾ ಸಮಿತಿ ಸಭೆಯಲ್ಲಿ ಕರಡು ನಿಯಮಗಳಲ್ಲಿ ಕೆಲವೊಂದು ಅಂಶಗಳನ್ನು ಸೇರ್ಪಡೆಗೊಳಿಸಲು ಹಾಗೂ ಕೆಲವು ಅಂಶಗಳನ್ನು ಕೈಬಿಡಲು ನಿರ್ಣಯಿಸಿ, ಕರಡು ತಿದ್ದುಪಡಿ ನಿಯಮಗಳನ್ನು ಅನುಮೋದಿಸಿರುತ್ತಾರೆ.<br><br>ಸಾರ್ವಜನಿಕ ಶಿಕ್ಷಣ ಇಲಾಖೆಯ ವೃಂದ ಮತ್ತು ನೇಮಕಾತಿ ನಿಯಮಗಳ ಸಮಗ್ರ ಪರಿಷ್ಕರಣಾ ತಿದ್ದುಪಡಿ ನಿಯಮಗಳ ಕುರಿತಂತೆ ಆರ್ಥಿಕ ಇಲಾಖೆ, ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ ಹಾಗೂ ಸಂಸದೀಯ ವ್ಯವಹಾರಗಳ ಇಲಾಖೆಗಳೊಂದಿಗೆ ಸಮಾಲೋಚಿಸಲಾಗಿದ್ದು, ಆರ್ಥಿಕ ಇಲಾಖೆಯು ಕೆಲವು ಮಾಹಿತಿ ಒದಗಿಸುವಂತೆ ಕೋರಿದೆ. ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆ ಹಾಗೂ ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆಗಳು ಕೆಲವು ಅಂಶಗಳ ಬಗ್ಗೆ ಸಲಹೆ / ಅಭಿಪ್ರಾಯ ನೀಡಿವೆ.<br><br>ಈ ಕುರಿತಂತೆ ದಿ:17/06/2020ರಂದು ಸರ್ಕಾರದ ಪ್ರಧಾನ ಕಾರ್ಯದರ್ಶಿ, ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಇಲಾಖೆ ರವರ ಅಧ್ಯಕ್ಷತೆಯಲ್ಲಿ ಸಾರ್ವಜನಿಕ ಶಿಕ್ಷಣ ಇಲಾಖೆಯ ಆಯುಕ್ತರು ಮತ್ತು ಇತರೆ ಅಧಿಕಾರಿಗಳೊಂದಿಗೆ ಸಭೆ ನಡೆಸಲಾಗಿದೆ. ಸದರಿ ಸಭೆಯಲ್ಲಿ, ಆರ್ಥಿಕ ಇಲಾಖೆಯು ಕೋರಿರುವ ಮಾಹಿತಿಯನ್ನು ಒದಗಿಸಲು ಮತ್ತು ಸಿಬ್ಬಂದಿ ಮತ್ತು ಆಡಳಿತ ಸುಧಾರಣೆ ಇಲಾಖೆಯು ನೀಡಿರುವ |

| | | |
|---|---|---|
| | | ಸಲಹೆಗಳನ್ನು ಅಳವಡಿಸಿಕೊಂಡು ಪರಿಷ್ಕೃತ ಕರಡು ನಿಯಮಗಳನ್ನು ಸಿದ್ಧಪಡಿಸಿ, ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆಯ ಪರಿಶೋಧನೆಗೆ ಕಳುಹಿಸಲು ನಿರ್ಣಯಿಸಲಾಗಿದೆ. ಅದರಂತೆ, ಆರ್ಥಿಕ ಇಲಾಖೆಯು ಕೋರಿರುವ ಮಾಹಿತಿಯನ್ನು ಒದಗಿಸಿ, ಅಭಿಪ್ರಾಯ / ಸಹಮತಿಗಾಗಿ ಕಡತವನ್ನು ಆರ್ಥಿಕ ಇಲಾಖೆಗೆ ಕಳುಹಿಸಲಾಗಿದೆ. ಸದರಿ ಇಲಾಖೆಯಿಂದ ಮಾಹಿತಿ / ಸಲಹೆ ಸ್ವೀಕೃತವಾದ ನಂತರ ಅವುಗಳನ್ನು ಪರಿಷ್ಕೃತ ಕರಡು ನಿಯಮದಲ್ಲಿ ಅಳವಡಿಸಿಕೊಂಡು ಸಂಸದೀಯ ವ್ಯವಹಾರಗಳು ಮತ್ತು ಶಾಸನ ರಚನಾ ಇಲಾಖೆಗೆ ಕಳುಹಿಸಲು ಕ್ರಮವಹಿಸಲಾಗುವುದು. |
| ಆ | ಈ ಬಗ್ಗೆ ಸಚಿವರ ಸಂಪುಟದಲ್ಲಿ ಮಂಡಿಸಿ ಅನುಮೋದನೆ ಪಡೆಯಲು ಸರ್ಕಾರವು ನಿರ್ಧರಿಸಿದೆಯೇ; | ಹೌದು |
| ಇ | ಹಾಗಿದ್ದಲ್ಲಿ, ಯಾವ ಕಾಲಮಿತಿಯಲ್ಲಿ ಈ ಪ್ರಕ್ರಿಯೆಗೆ ಚಾಲನೆ ನೀಡಲಾಗುವುದು? | ವೃಂದ ಮತ್ತು ನೇಮಕಾತಿಗಳ ಕರಡು ನಿಯಮಗಳನ್ನು ಸಂಸದೀಯ ವ್ಯವಹಾರಗಳ ಸಾಸನ ರಚನಾ ಇಲಾಖೆಯಿಂದ ಪರಿಶೋಧಿಸಿಕೊಂಡು, ಆರ್ಥಿಕ ಇಲಾಖೆಯ ಸಹಮತಿ ಹಾಗೂ ಸಚಿವ ಸಂಪುಟದ ಅನುಮೋದನೆ ಪಡೆದು ಆದೇಶ ಹೊರಡಿಸಲಾಗುವುದು. |

ಸಂಖ್ಯೆ: ಇಪಿ 29 ಎಲ್‌ಬಿಪಿ 2021

(ಎಸ್. ಸುರೇಶ್ ಕುಮಾರ್)
ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ
ಸಕಾಲ ಸಚಿವರು